# ಕರ್ನಾಟಕ ವಿಧಾನಸಭೆ

ಹದಿನಾಲ್ಕನೇ ವಿಧಾನಸಭೆ
(ಒಂಬತ್ತನೇ ಅಧಿವೇಶನ)

## ಕಾರ್ಯಕಲಾಪಗಳ ಪಟ್ಟಿ

ಶುಕ್ರವಾರ, ದಿನಾಂಕ 04ನೇ ಮಾರ್ಚ್, 2016
(ಸಮಯ: ಬೆಳಗ್ಗೆ 11.00 ಗಂಟೆ)

### 1. ನೂತನ ಸದಸ್ಯರಿಂದ ಪ್ರಮಾಣ ವಚನ ಅಥವಾ ಪ್ರತಿಜ್ಞಾ ವಚನ ಸ್ವೀಕಾರ

### 2. ರಾಜ್ಯಪಾಲರ ಭಾಷಣಕ್ಕೆ ಸಂಬಂಧಿಸಿದ ವಂದನಾರ್ಪಣಾ ಪ್ರಸ್ತಾವ

"2016ರ ಫೆಬ್ರವರಿ 29ರಂದು ವಿಧಾನಮಂಡಲದ ಉಭಯ ಸದನಗಳ ಸದಸ್ಯರನ್ನುದ್ದೇಶಿಸಿ ದಯಪಾಲಿಸಿದ ಭಾಷಣಕ್ಕಾಗಿ ಈ ಅಧಿವೇಶನದಲ್ಲಿ ಸೇರಿರುವ ವಿಧಾನಸಭೆಯ ಸದಸ್ಯರಾದ ನಾವು ಮಾನ್ಯ ರಾಜ್ಯಪಾಲರಿಗೆ ಕೃತಜ್ಞತಾಪೂರ್ವಕವಾದ ವಂದನೆಗಳನ್ನು ಸಮರ್ಪಿಸಲು ಅಪ್ಪಣೆ ಕೋರುತ್ತೇವೆ" ಎಂದು ದಿನಾಂಕ 01ನೇ ಮಾರ್ಚ್ 2016ರಂದು ಶ್ರೀ ಕೆ.ಆರ್.ರಮೇಶ್‌ಕುಮಾರ್ ರವರು ಸೂಚಿಸಿದ ಪ್ರಸ್ತಾವದ ಮೇಲೆ ಮುಂದುವರೆದ ಚರ್ಚೆ ಹಾಗೂ ಸರ್ಕಾರದ ಉತ್ತರ.

### 3. ಪ್ರಶ್ನೋತ್ತರ

ಅ) ಸದನದಲ್ಲಿ ಉತ್ತರಿಸುವ ಪ್ರಶ್ನೆಗಳು : ನಾಲ್ಕನೇ ಪಟ್ಟಿ
ಆ) ಲಿಖಿತ ಮೂಲಕ ಉತ್ತರಿಸುವ ಪ್ರಶ್ನೆಗಳು : ನಾಲ್ಕನೇ ಪಟ್ಟಿ

### 4. ಶಾಸನ ರಚನೆ

### I. ವಿಧೇಯಕವನ್ನು ಮಂಡಿಸುವುದು

**ಕರ್ನಾಟಕ ಸ್ಟಾಂಪು (ತಿದ್ದುಪಡಿ) ವಿಧೇಯಕ, 2016**
**ಶ್ರೀ ವಿ.ಶ್ರೀನಿವಾಸ ಪ್ರಸಾದ್ (ಕಂದಾಯ ಸಚಿವರು) ಅವರು:-**

ಅ) 2016ನೇ ಸಾಲಿನ ಕರ್ನಾಟಕ ಸ್ಟಾಂಪು (ತಿದ್ದುಪಡಿ) ವಿಧೇಯಕವನ್ನು ಮಂಡಿಸಲು ಅನುಮತಿ ಕೋರುವುದು:
ಆ) ಹಾಗೂ ವಿಧೇಯಕವನ್ನು ಮಂಡಿಸುವುದು.

### II. ವಿಧೇಯಕಗಳನ್ನು ಪರ್ಯಾಲೋಚಿಸುವುದು ಹಾಗೂ ಅಂಗೀಕರಿಸುವುದು

1. **ಕರ್ನಾಟಕ ಲೋಕಸೇವಾ ಆಯೋಗ (ವ್ಯವಹಾರ ನಿರ್ವಹಣೆ ಮತ್ತು ಹೆಚ್ಚುವರಿ ಪ್ರಕಾರ್ಯಗಳು) (ತಿದ್ದುಪಡಿ) ವಿಧೇಯಕ, 2016**
**ಶ್ರೀ ಸಿದ್ದರಾಮಯ್ಯ (ಮುಖ್ಯಮಂತ್ರಿ) ಅವರು:-**

ಅ) 2016ನೇ ಸಾಲಿನ ಕರ್ನಾಟಕ ಲೋಕಸೇವಾ ಆಯೋಗ (ವ್ಯವಹಾರ ನಿರ್ವಹಣೆ ಮತ್ತು ಹೆಚ್ಚುವರಿ ಪ್ರಕಾರ್ಯಗಳು) (ತಿದ್ದುಪಡಿ) ವಿಧೇಯಕವನ್ನು ಪರ್ಯಾಲೋಚಿಸಬೇಕೆಂದು ಸೂಚಿಸುವುದು:
ಆ) ಹಾಗೂ ವಿಧೇಯಕವನ್ನು ಅಂಗೀಕರಿಸಬೇಕೆಂದು ಸೂಚಿಸುವುದು.

2...

2. **ಬಾಲ್ಯವಿವಾಹ ನಿಷೇಧ (ಕರ್ನಾಟಕ ತಿದ್ದುಪಡಿ) ವಿಧೇಯಕ, 2016**
**ಶ್ರೀಮತಿ ಉಮಾಶ್ರೀ (ಮಹಿಳಾ ಮತ್ತು ಮಕ್ಕಳ ಕಲ್ಯಾಣ, ಕನ್ನಡ ಮತ್ತು ಸಂಸ್ಕೃತಿ ಸಚಿವರು) ಅವರು:-**
ಅ) 2016ನೇ ಸಾಲಿನ ಬಾಲ್ಯವಿವಾಹ ನಿಷೇಧ (ಕರ್ನಾಟಕ ತಿದ್ದುಪಡಿ) ವಿಧೇಯಕವನ್ನು ಪರ್ಯಾಲೋಚಿಸಬೇಕೆಂದು ಸೂಚಿಸುವುದು:
ಆ) ಹಾಗೂ ವಿಧೇಯಕವನ್ನು ಅಂಗೀಕರಿಸಬೇಕೆಂದು ಸೂಚಿಸುವುದು.

3. **ಕ್ರಾಂತಿವೀರ ಸಂಗೊಳ್ಳಿ ರಾಯಣ್ಣ ಕ್ಷೇತ್ರ ಅಭಿವೃದ್ಧಿ ಪ್ರಾಧಿಕಾರ ವಿಧೇಯಕ, 2016**
**ಶ್ರೀ ಹೆಚ್.ಆಂಜನೇಯ (ಸಮಾಜ ಕಲ್ಯಾಣ ಮತ್ತು ಹಿಂದುಳಿದ ವರ್ಗಗಳ ಕಲ್ಯಾಣ ಸಚಿವರು) ಅವರು:-**
ಅ) 2016ನೇ ಸಾಲಿನ ಕ್ರಾಂತಿವೀರ ಸಂಗೊಳ್ಳಿ ರಾಯಣ್ಣ ಕ್ಷೇತ್ರ ಅಭಿವೃದ್ಧಿ ಪ್ರಾಧಿಕಾರ ವಿಧೇಯಕವನ್ನು ಪರ್ಯಾಲೋಚಿಸಬೇಕೆಂದು ಸೂಚಿಸುವುದು:
ಆ) ಹಾಗೂ ವಿಧೇಯಕವನ್ನು ಅಂಗೀಕರಿಸಬೇಕೆಂದು ಸೂಚಿಸುವುದು.

4. **ಕರ್ನಾಟಕ ರಾಜ್ಯ ಅಲ್ಪಸಂಖ್ಯಾತರ ಆಯೋಗ (ತಿದ್ದುಪಡಿ) ವಿಧೇಯಕ, 2016**
**ಶ್ರೀ ಖಮರ್ ಉಲ್ ಇಸ್ಲಾಂ (ಪೌರಾಡಳಿತ, ಸ್ಥಳೀಯ ಸಂಸ್ಥೆಗಳು, ಸಾರ್ವಜನಿಕ ಉದ್ದಿಮೆಗಳು ಹಾಗೂ ಅಲ್ಪಸಂಖ್ಯಾತರ ಕಲ್ಯಾಣ ಮತ್ತು ವಕ್ಫ್ ಸಚಿವರು) ಅವರು:-**
ಅ) 2016ನೇ ಸಾಲಿನ ಕರ್ನಾಟಕ ರಾಜ್ಯ ಅಲ್ಪಸಂಖ್ಯಾತರ ಆಯೋಗ (ತಿದ್ದುಪಡಿ) ವಿಧೇಯಕವನ್ನು ಪರ್ಯಾಲೋಚಿಸಬೇಕೆಂದು ಸೂಚಿಸುವುದು:
ಆ) ಹಾಗೂ ವಿಧೇಯಕವನ್ನು ಅಂಗೀಕರಿಸಬೇಕೆಂದು ಸೂಚಿಸುವುದು.

5. **ಕರ್ನಾಟಕ ಸ್ಟಾಂಪು (ತಿದ್ದುಪಡಿ) ವಿಧೇಯಕ, 2016**
**ಶ್ರೀ ವಿ.ಶ್ರೀನಿವಾಸ ಪ್ರಸಾದ್ (ಕಂದಾಯ ಸಚಿವರು) ಅವರು:-**
ಅ) 2016ನೇ ಸಾಲಿನ ಕರ್ನಾಟಕ ಸ್ಟಾಂಪು (ತಿದ್ದುಪಡಿ) ವಿಧೇಯಕವನ್ನು ಪರ್ಯಾಲೋಚಿಸಬೇಕೆಂದು ಸೂಚಿಸುವುದು:
ಆ) ಹಾಗೂ ವಿಧೇಯಕವನ್ನು ಅಂಗೀಕರಿಸಬೇಕೆಂದು ಸೂಚಿಸುವುದು.

## 5. ಗಮನ ಸೆಳೆಯುವ ಸೂಚನೆಗಳು

1. **ಶ್ರೀ ಪಿ.ರಾಜೀವ್** ರವರು - ಬೆಳಗಾವಿಯ ರಾಯಭಾಗ ತಾಲ್ಲೂಕಿನ ಗುರುವ ಜಾತಿಯ ಅಭ್ಯರ್ಥಿಗಳಿಗೆ ಕ್ಯಾಟಗಿರಿ 1ರ ಪ್ರಮಾಣ ಪತ್ರದ ಬದಲು 2012 ರಿಂದ ಕ್ಯಾಟಗಿರಿ 2ರ ಪ್ರಮಾಣ ಪತ್ರ ನೀಡುತ್ತಿರುವ ಬಗ್ಗೆ ಮಾನ್ಯ ಸಮಾಜ ಕಲ್ಯಾಣ ಹಾಗೂ ಹಿಂದುಳಿದ ವರ್ಗಗಳ ಕಲ್ಯಾಣ ಸಚಿವರ ಗಮನ ಸೆಳೆಯುವುದು.

2. **ಶ್ರೀ ಕೆ.ಜಿ.ಬೋಪಯ್ಯ** ರವರು - ದಿನಾಂಕ 15.01.2016 ರಂದು ಮಡಿಕೇರಿ ತಾಲ್ಲೂಕಿನ ಕರವಾಲೆ ಬಾಡಗ ಗ್ರಾಮದ ಕಂದಾಯ ಇಲಾಖೆಗೆ ಸೇರಿದ ಸರ್ಕಾರಿ ಜಮೀನಿನಲ್ಲಿ ವಾಸವಿದ್ದ ಮಾಜಿ ಸೈನಿಕರು ಮತ್ತು ವಿಧವೆಯರ ಮನೆಗಳನ್ನು ಯಾವುದೇ ಮುನ್ಸೂಚನೆ ಇಲ್ಲದೆ ಕಂದಾಯ ಇಲಾಖೆಯ ಅಧಿಕಾರಿಗಳು ಕಾನೂನು ಬಾಹಿರವಾಗಿ ಕೆಡವಿರುವುದರಿಂದ ಸಂಕಷ್ಟಕ್ಕೊಳಗಾಗಿರುವವರಿಗೆ ಹಕ್ಕು ಪತ್ರ ನೀಡಿ ಮನೆ ನಿರ್ಮಿಸಲು ಕ್ರಮಕೈಗೊಳ್ಳುವುದು ಹಾಗೂ ಸಂಬಂಧಿಸಿದ ಅಧಿಕಾರಿಗಳ ಮೇಲೆ ಕ್ರಮ ಕೈಗೊಳ್ಳುವುದರ ಬಗ್ಗೆ ಮಾನ್ಯ ಕಂದಾಯ ಸಚಿವರ ಗಮನ ಸೆಳೆಯುವುದು.

3. **ಶ್ರೀ ಸಿ.ಟಿ.ರವಿ** ರವರು - ಚಿಕ್ಕಮಗಳೂರು ಜಿಲ್ಲೆಯ ದುಗ್ಲಾಪುರ ಹಾಗೂ ಸಿದ್ದರಹಳ್ಳಿಯಲ್ಲಿ ರೈತರ ಬೆಳೆಯು ಆನೆಗಳ ದಾಳಿಯಿಂದ ನಷ್ಟಕ್ಕೊಳಗಾಗಿದ್ದು, ಇವರಿಗೆ ರಕ್ಷಣೆ ಹಾಗೂ ಕೂಡಲೇ ಸೂಕ್ತ ಪರಿಹಾರವನ್ನು ಒದಗಿಸುವ ಬಗ್ಗೆ ಮಾನ್ಯ ಅರಣ್ಯ ಸಚಿವರ ಗಮನ ಸೆಳೆಯುವುದು.

4. **ಶ್ರೀ ಎಂ.ಪಿ.ರವೀಂದ್ರ** ರವರು – ಬರಗಾಲದಿಂದ ಅಂತರ್ಜಲ ಸಂಪೂರ್ಣವಾಗಿ ಬತ್ತಿ ಹೋಗಿ ಬಳಲುತ್ತಿರುವ ಹರಪನಹಳ್ಳಿಯ ಜನ ಜಾನುವಾರುಗಳಿಗೆ ಆಗುತ್ತಿರುವ ತೊಂದರೆಯನ್ನು ನೀಗಿಸಲು ತಾಲ್ಲೂಕಿನ 60 ಕೆರೆಗಳಿಗೆ ನೀರು ತುಂಬಿಸುವ ಯೋಜನೆಯನ್ನು ಕೈಗೆತ್ತಿಕೊಂಡು ಕುಡಿಯುವ ನೀರಿನ ಸಮಸ್ಯೆಯನ್ನು ಸರಿಪಡಿಸುವ ಬಗ್ಗೆ ಮಾನ್ಯ ಜಲಸಂಪನ್ಮೂಲ ಸಚಿವರ ಗಮನ ಸೆಳೆಯುವುದು.

5. **ಶ್ರೀ ಕೆ.ಎಂ.ಶಿವಲಿಂಗೇಗೌಡ** ರವರು - ಬರ ಪರಿಹಾರದ ಕುಡಿಯುವ ನೀರಿನ ಕಾಮಗಾರಿಗಳಿಗೆ ಮೋಟಾರ್ ಮತ್ತು ಪಂಪ್‌ಗಳನ್ನು ಅಳವಡಿಸಲು ಮತ್ತು ವಿದ್ಯುತ್ ಸಂಪರ್ಕ ಕಲ್ಪಿಸಲು ಪ್ರಸ್ತುತ ಚಾಲ್ತಿಯಲ್ಲಿರುವ ನಿಯಮಗಳಿಂದ ತೊಂದರೆಯಾಗುತ್ತಿರುವ ಬಗ್ಗೆ ಮಾನ್ಯ ಗ್ರಾಮೀಣಾಭಿವೃದ್ಧಿ ಮತ್ತು ಪಂಚಾಯತ್ ರಾಜ್ ಸಚಿವರ ಗಮನ ಸೆಳೆಯುವುದು.

6. **ಶ್ರೀ ವೈ.ಎ.ನಾರಾಯಣ ಸ್ವಾಮಿ** ರವರು - ಕೋಲಾರ, ಚಿಕ್ಕಬಳ್ಳಾಪುರ, ಬೆಂಗಳೂರು ಗ್ರಾಮಾಂತರ ಹಾಗೂ ರಾಮನಗರ ಜಿಲ್ಲೆಗಳಿಗೆ ಕುಡಿಯುವ ನೀರಿನ ಯೋಜನೆಯಾದ "ಎತ್ತಿನ ಹೊಳೆ" ಯೋಜನೆಯ ಪ್ರಗತಿಯು ಕುಂಠಿತವಾಗಿರುವ ಬಗ್ಗೆ ಮಾನ್ಯ ಭಾರಿ ಮತ್ತು ಮಧ್ಯಮ ನೀರಾವರಿ ಸಚಿವರ ಗಮನ ಸೆಳೆಯುವುದು.

7. **ಶ್ರೀ ಜೆ.ಆರ್.ಲೋಬೋ** ರವರು – ಮಂಗಳೂರಿನ ವೆನ್‌ಲಾಕ್ ಆಸ್ಪತ್ರೆಯ ಶವಾಗಾರದಲ್ಲಿ ಅನಾಥ ಶವಗಳು ವಿಲೇವಾರಿಯಾಗದೇ ಇದ್ದು, ಈ ಸಂಬಂಧ ಸರ್ಕಾರದ ಆದೇಶದಂತೆ ಅನಾಥ ಶವಗಳ ವಿಲೇವಾರಿಗೆ ದಕ್ಷಿಣ ಕನ್ನಡ ಜಿಲ್ಲೆಯ ಜಿಲ್ಲಾಧಿಕಾರಿಗಳಿಂದ ಆಗುತ್ತಿರುವ ತೊಂದರೆಯ ಬಗ್ಗೆ ಮಾನ್ಯ ಆರೋಗ್ಯ ಮತ್ತು ಕುಟುಂಬ ಕಲ್ಯಾಣ ಸಚಿವರ ಗಮನ ಸೆಳೆಯುವುದು.

8. **ಶ್ರೀ ಕೆ.ಬಿ. ಪ್ರಸನ್ನ ಕುಮಾರ್** ರವರು - ಪ್ರತಿ ದಿನ ಮನೆ ಮನೆಗೆ ವಾರ್ತಾ ಪತ್ರಿಕೆಗಳನ್ನು ಹಂಚುವವರನ್ನು "ಅಸಂಘಟಿತ ಕಾರ್ಮಿಕ"ರ ವಲಯಕ್ಕೆ ಸೇರಿಸುವ ಬಗ್ಗೆ ಮಾನ್ಯ ಕಾರ್ಮಿಕ ರಾಜ್ಯ ಸಚಿವರ ಗಮನ ಸೆಳೆಯುವುದು.

9. **ಶ್ರೀ ಬಿ. ಸುರೇಶ್ ಗೌಡ** ರವರು - ಬೆಂಗಳೂರಿನ ಅಲೆಯನ್ಸ್ ವಿಶ್ವವಿದ್ಯಾಲಯದಲ್ಲಿ ಆಗಿರುವ ಅಕ್ರಮಗಳನ್ನು ಸಿ.ಓ.ಡಿ. ತನಿಖೆ ನಡೆಸುವ ಬಗ್ಗೆ ಮಾನ್ಯ ಕಾನೂನು, ಸಂಸದೀಯ ವ್ಯವಹಾರಗಳು ಮತ್ತು ಉನ್ನತ ಶಿಕ್ಷಣ ಸಚಿವರ ಗಮನ ಸೆಳೆಯುವುದು.

10. **ಶ್ರೀ ವಿ.ಸುನೀಲ್ ಕುಮಾರ್** ರವರು – ಕಾರ್ಕಳ ತಾಲ್ಲೂಕಿನಾದ್ಯಂತ ರಾಜ್ಯ ರಸ್ತೆ ಸಾರಿಗೆ ಸಂಸ್ಥೆಯ ಗ್ರಾಮೀಣ ಸಾರಿಗೆ ವ್ಯವಸ್ಥೆ ಕಲ್ಪಿಸುವ ಬಗ್ಗೆ ಮಾನ್ಯ ಸಾರಿಗೆ ಸಚಿವರ ಗಮನ ಸೆಳೆಯುವುದು.

## 6. ನಿಯಮ 69ರ ಮೇರೆಗೆ ಸಾರ್ವಜನಿಕ ಮಹತ್ವದ ಜರೂರು ವಿಷಯದ ಬಗ್ಗೆ ಅಲ್ಪ ಕಾಲಾವಧಿ ಚರ್ಚೆ

**ಶ್ರೀಯುತರುಗಳಾದ ಬಿ.ಆರ್.ಯಾವಗಲ್, ಜಿ.ಎಸ್.ಪಾಟೀಲ್ ಮತ್ತು ರಾಮಕೃಷ್ಣ ಶಿ ದೊಡ್ಡಮನಿ** ಅವರುಗಳು – ಮಲಪ್ರಭಾ ನದಿಯ ಕೊಳ್ಳಕ್ಕೆ ಮಹಾದಾಯಿ ನದಿಯಿಂದ ನೀರನ್ನು ಪಡೆಯುವಂತೆ ಒತ್ತಾಯಿಸಿ ಉತ್ತರ ಕರ್ನಾಟಕದ ಅನೇಕ ಕಡೆ 200ಕ್ಕೂ ಹೆಚ್ಚು ದಿನಗಳಿಂದ ನಡೆಯುತ್ತಿರುವ ರೈತರ ಚಳುವಳಿಯ ಬಗ್ಗೆ ನೀಡಿರುವ ಸೂಚನೆಯ ಮೇಲೆ ಚರ್ಚೆ.

**ಎಸ್.ಮೂರ್ತಿ**
**ಕಾರ್ಯದರ್ಶಿ**(I/c)

ವಿಧಾನಸಭೆಯ ಕಾರ್ಯಕಲಾಪಗಳ ಪಟ್ಟಿಯನ್ನು ವೆಬ್‌ಸೈಟ್‌ನಲ್ಲಿಯೂ ಸಹ ಪಡೆದುಕೊಳ್ಳಬಹುದು.
http://kla.kar.nic.in/assembly/lob/lob.htm